


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 24-03-2021 ಪ್ರಶ್ನೆ ಸಂಖ್ಯೆ : 1700 (2090)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 24-03-2021

ಉತ್ತರಿಸುವ ಸಚಿವರು: ಮಾನ್ಯ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರು

ವಿಷಯ : ರೈತ ಕುಟುಂಬಕ್ಕೆ ನಷ್ಟ ಪರಿಹಾರ ಹಣ ನೀಡುವ ಬಗ್ಗೆ

(ಅ) ಮಂಡ್ಯ ಜಿಲ್ಲೆ ವ್ಯಾಪ್ತಿಯಲ್ಲಿ ಕಳೆದ ಮೂರು ವರ್ಷಗಳಲ್ಲಿ ಚಿರತೆ ಅಥವಾ ಇತರೆ ಕಾಡು ಪ್ರಾಣಿಗಳ ದಾಳಿಯಿಂದ ರೈತರ ಎಷ್ಟು ಜಾನುವಾರುಗಳು ಮೃತಪಟ್ಟಿವೆ ; (ಜಾನುವಾರು, ತಾಲ್ಲೂಕುವಾರು ವಿವರ ನೀಡುವುದು)

(ಆ) ಸದರಿ ಮೃತಪಟ್ಟ ಅಥವಾ ಗಾಯಗೊಂಡ ಸಾಕು ಪ್ರಾಣಿಗಳಿಗೆ ಸರ್ಕಾರದಿಂದ ಪರಿಹಾರ ಕಲ್ಪಿಸಲಾಗಿದೆಯೇ ; ಹಾಗಿದ್ದಲ್ಲಿ, (ಜಾನುವಾರುವಾರು, ತಾಲ್ಲೂಕುವಾರು ಪರಿಹಾರ ನೀಡಿರುವ ಫಲಾನುಭವಿಗಳ ವಿವರ ನೀಡುವುದು)

(ಇ) ನಾಗಮಂಗಲ ತಾಲ್ಲೂಕು ಹೊನಕೆರೆ ಹೋಬಳಿ ಶೆಟ್ಟಿಹಳ್ಳಿ ಗ್ರಾಮದಲ್ಲಿ ಇತ್ತೀಚೆಗೆ 10 ಕುರಿಗಳು ಚಿರತೆ ದಾಳಿಯಿಂದ ಮೃತಪಟ್ಟಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಈ ಸಂಬಂಧ ಸದರಿ ರೈತ ಕುಟುಂಬಕ್ಕೆ ಎಷ್ಟು ಪರಿಹಾರ ಧನ ನೀಡಲಾಗಿದೆ ; (ವಿವರ ನೀಡುವುದು)

(ಈ) ನಾಗಮಂಗಲ ತಾಲ್ಲೂಕು ವ್ಯಾಪ್ತಿಯಲ್ಲಿ ಚಿರತೆ ದಾಳಿಗಳು ಆಗಾಗ ನಡೆಯುತ್ತಲೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಈ ಸಂಬಂಧ ಚಿರತೆ ದಾಳಿಯನ್ನು ತಡೆಯಲು ಸರ್ಕಾರ ಯಾವ ಕ್ರಮಕೈಗೊಂಡಿದೆ ; (ವಿವರ ನೀಡುವುದು)

(ಉ) ರೈತ ಕುಟುಂಬಕ್ಕೆ ನಷ್ಟ ಪರಿಹಾರ ಧನ ನೀಡುವ ಬಗ್ಗೆ ಸರ್ಕಾರ ಕೈಗೊಂಡ ಕ್ರಮಗಳೇನು ?